# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ | : | 1742 |
| ಸದಸ್ಯರ ಹೆಸರು | : | ಶ್ರೀಮತಿ ಎಸ್. ವೀಣಾ ಅಚ್ಚಯ್ಯ (ವಿಧಾನಸಭೆಯಿಂದ ಚುನಾಯಿತರಾದವರು) |
| ಉತ್ತರಿಸಬೇಕಾದ ದಿನಾಂಕ | : | 14.03.2022 |
| ಉತ್ತರಿಸುವವರು | : | ಮಾನ್ಯ ಅರಣ್ಯ ಹಾಗೂ ಆಹಾರ, ನಾಗರಿಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಸಚಿವರು |

| ಕ್ರ ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಕೊಡಗು ಜಿಲ್ಲೆಯ ತಣ್ಣೀಮಾನಿ ಗ್ರಾಮದ 'ನಿಶಾನಿ ಮೊಟ್ಟೆ' ಮೀಸಲು ಅರಣ್ಯದ ಪ್ರದೇಶದಲ್ಲಿ ಅಕ್ರಮವಾಗಿ ಹರಳು ಕಲ್ಲು ಗಣಿಗಾರಿಕೆ ನಡೆಯುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬಂದಿದೆ. |
| ಆ) | ಬಂದಿದ್ದಲ್ಲಿ, ಈ ರೀತಿಯಲ್ಲಿ ಮೀಸಲು ಅರಣ್ಯದ ಪ್ರದೇಶದಲ್ಲಿ ಅಕ್ರಮ ಹರಳು ಕಲ್ಲು ಗಣಿಗಾರಿಕೆ ನಡೆಯುತ್ತಿರುವುದನ್ನು ತಡೆಯಲು, ಅರಣ್ಯ ಇಲಾಖೆ ಇದುವರೆಗೆ ಕೈಗೊಂಡಿರುವ ಕ್ರಮಗಳೇನು ; | ಕೊಡಗು ಜಿಲ್ಲೆಯ ತಣ್ಣೀಮಾನಿ ಗ್ರಾಮದ 'ನಿಶಾನಿ ಮೊಟ್ಟೆ' ಮೀಸಲು ಅರಣ್ಯ ಪ್ರದೇಶದಲ್ಲಿ ಅಕ್ರಮ ಗಣಿಗಾರಿಕೆ ತಡೆಯಲು ಸಿ.ಸಿ.ಟಿ.ವಿ. ಕ್ಯಾಮರಾಗಳನ್ನು ಅಳವಡಿಸಲು ಈಗಾಗಲೇ ಕ್ರಮಕೈಗೊಳ್ಳಲಾಗಿದೆ. |
| ಇ) | ಈ ದಂಧೆಯಲ್ಲಿ ಭಾಗಿಯಾಗಿರುವ ಎಷ್ಟು ಜನ ಆರೋಪಿಗಳನ್ನು ಇದುವರೆಗೆ ಮೀಸಲು ಅರಣ್ಯ ಸಂರಕ್ಷಣೆಗಾಗಿ ಇರುವ ಕಠಿಣ ಕಾನೂನಿನ ನಿಯಮಗಳ ಅಡಿಯಲ್ಲಿ ಶಿಕ್ಷೆಗೆ ಗುರಿಪಡಿಸಲಾಗಿದೆ; | ಕೊಡಗು ಜಿಲ್ಲೆಯ ತಣ್ಣೀಮಾನಿ ಗ್ರಾಮದ 'ನಿಶಾನಿ ಮೊಟ್ಟೆ' ಮೀಸಲು ಅರಣ್ಯ ಪ್ರದೇಶದಲ್ಲಿ ಆರೋಪಿಗಳ ವಿರುದ್ಧ ಅರಣ್ಯ ಕಾನೂನಿನಡಿಯಲ್ಲಿ ನಿಯಮಾನುಸಾರ ಕ್ರಮ ಕೈಗೊಳ್ಳಲಾಗಿದೆ. ಅದರಲ್ಲಿ ಒಬ್ಬರನ್ನು ನ್ಯಾಯಾಂಗ ಬಂಧನಕ್ಕೆ ಒಪ್ಪಿಸಲಾಗಿದ್ದು, ಉಳಿದ ಆರೋಪಿಗಳು ತಲೆ ಮರೆಸಿಕೊಂಡಿರುವುದರಿಂದ ಆರೋಪಿಗಳನ್ನು ಪತ್ತೆಹಚ್ಚಿ ಬಂಧಿಸಲು ವಲಯ ಅರಣ್ಯಾಧಿಕಾರಿ ಮತ್ತು ಉಪ ವಲಯ ಅರಣ್ಯಾಧಿಕಾರಿಗಳನ್ನೊಳಗೊಂಡ ತನಿಖಾ ತಂಡವನ್ನು ರಚಿಸಲಾಗಿದೆ. |
| ಈ) | 'ನಿಶಾನಿ ಮೊಟ್ಟೆ' ಮೀಸಲು ಅರಣ್ಯದ ಜಾಗದಲ್ಲಿ ಅಕ್ರಮ ಹರಳು ಕಲ್ಲು ಗಣಿಗಾರಿಕೆಯನ್ನು ಸಂಪೂರ್ಣವಾಗಿ ನಿಲ್ಲಿಸಲಾಗಿದೆಯೇ? | ಕೊಡಗು ಜಿಲ್ಲೆಯ ತಣ್ಣೀಮಾನಿ ಗ್ರಾಮದ ಭಾಗಮಂಡಲ ವಲಯದ 'ನಿಶಾನಿ ಮೊಟ್ಟೆ' ಮೀಸಲು ಅರಣ್ಯ ಪ್ರದೇಶದಲ್ಲಿ ಅಕ್ರಮ ಹರಳು ಗಣಿಗಾರಿಕೆಯನ್ನು ನಿಷೇಧಿಸಿದ್ದು, ಸಂಪೂರ್ಣವಾಗಿ ನಿಲ್ಲಿಸಲು ಕಟ್ಟುನಿಟ್ಟಿನ ಕ್ರಮಕೈಗೊಳ್ಳಲಾಗಿದೆ. |

**ಸಂಖ್ಯೆ: ಎಫ್‌ಇಇ 18 ಎಫ್‌ಎಫ್‌ಎಂ 2022(ಇ)**

(ಉಮೇಶ ವಿ. ಕತ್ತಿ)
ಅರಣ್ಯ ಹಾಗೂ ಆಹಾರ, ನಾಗರಿಕ ಸರಬರಾಜು
ಮತ್ತು ಗ್ರಾಹಕರ ವ್ಯವಹಾರಗಳ ಸಚಿವರು